ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಬುಧವಾರ, ದಿನಾಂಕ : 04 ನೇ ಮಾರ್ಚ್, 2020

ಶಿವಮೊಗ್ಗ ಜಿಲ್ಲೆಯಲ್ಲಿ ಎಲ್ಲಾ ಗ್ರಾಮಗಳಿಗೆ ಸ್ಮಶಾನ ಮಂಜೂರು ಮಾಡುವ ಕುರಿತು

ಶ್ರೀ ಆರ್. ಪ್ರಸನ್ನ ಕುಮಾರ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

213 (308) ಮಾನ್ಯ ಕಂದಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಶಿವಮೊಗ್ಗ ಮತ್ತು ದಾವಣಗೆರೆ ಜಿಲ್ಲೆಯ ಹೊನ್ನಾಳಿ ಮತ್ತು ಚನ್ನಗಿರಿ ತಾಲ್ಲೂಕುಗಳ ಎಲ್ಲಾ ಗ್ರಾಮಗಳಲ್ಲಿ ಸಾರ್ವಜನಿಕ ಸ್ಮಶಾನ ಮಂಜೂರು ಆಗಿದೆಯೇ ; ಸ್ಮಶಾನಗಳು ಇಲ್ಲದಿದ್ದಲ್ಲಿ, ಸ್ಮಶಾನಕ್ಕೆ ಜಾಗವನ್ನು ಕಾಯ್ದಿರಿಸಿರುವ ಬಗ್ಗೆ ಸರ್ಕಾರ ತೆಗೆದುಕೊಂಡಿರುವ ಕ್ರಮಗಳೇನು ;

(ಆ) ಕೆಲವು ಗ್ರಾಮ ಪಂಚಾಯಿತಿಗಳಲ್ಲಿ ಸಾರ್ವಜನಿಕ ಸ್ಮಶಾನ ಮಂಜೂರಾಗಿದ್ದು, ಸ್ಮಶಾನ ಜಾಗ ಗುರುತಿಸಲು ಸರ್ಕಾರಕ್ಕಿರುವ ಅಡೆತಡೆಗಳೇನು ;

(ಇ) ಸ್ಮಶಾನಗಳ ಅಭಿವೃದ್ಧಿಗೆ ರಸ್ತೆ, ನೀರು, ದೀಪದ ವ್ಯವಸ್ಥೆ ಮತ್ತು ಕಾಂಪೌಂಡ್ ವ್ಯವಸ್ಥೆಗಳನ್ನು ನೀಡಲು ಸರ್ಕಾರ ಯಾವ ಕ್ರಮಕೈಗೊಂಡಿದೆ ?